ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಬುಧವಾರ, ದಿನಾಂಕ : 24ನೇ ಜುಲೈ, 2019

4. ರಾಜ್ಯದಲ್ಲಿ ಹೊರಗುತ್ತಿಗೆ ಕಾರ್ಮಿಕರನ್ನು ಸರಬರಾಜು ಮಾಡುವ ಏಜೆನ್ಸಿಗಳ ಬಗ್ಗೆ

ಶ್ರೀ ಆಯನೂರು ಮಂಜುನಾಥ್ (ಪದವೀಧರರ ಕ್ಷೇತ್ರ) :-

559 (613) ಮಾನ್ಯ ಕಾರ್ಮಿಕ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದಲ್ಲಿ ಹೊರಗುತ್ತಿಗೆ ಕಾರ್ಮಿಕರನ್ನು ಸರಬರಾಜು ಮಾಡುವ ಏಜೆನ್ಸಿಗಳು ಕಾರ್ಯನಿರ್ವಹಿಸುತ್ತಿರುವುದು ಸರ್ಕಾರದ ಗಮನದಲ್ಲಿದೆಯೇ; ಹಾಗಿದ್ದಲ್ಲಿ, ಹೊರಗುತ್ತಿಗೆ ಏಜೆನ್ಸಿಗಳು ನಿರ್ವಹಿಸುತ್ತಿರುವ ಸರ್ಕಾರಿ, ಅರೆ ಸರ್ಕಾರಿ ಹಾಗೂ ಖಾಸಗಿ ಸಂಸ್ಥೆಗಳ ವಿವರವಾದ ಮಾಹಿತಿಯನ್ನು ಜಿಲ್ಲಾವಾರು ನೀಡುವುದು;

(ಆ) ಹೊರಗುತ್ತಿಗೆಗಳು ಕಾನೂನು ಬದ್ಧವಾಗಿ ನಿರ್ವಹಿಸಲು ಇರುವ ಕಾನೂನಿನ ಮಾಹಿತಿ ನೀಡುವುದು; ಕಾನೂನು ಉಲ್ಲಂಘಿಸಿದ ಸಂಸ್ಥೆಗಳ ವಿರುದ್ಧ ಕ್ರಮ ಕೈಗೊಳ್ಳಲಾಗಿದೆಯೇ; ಹಾಗಿದ್ದಲ್ಲಿ, ಜಿಲ್ಲಾವಾರು ಮಾಹಿತಿ ನೀಡುವುದು?